

**ಕರ್ನಾಟಕ ವಿಧಾನ ಪರಿಷತ್ತು**

| | |
|---|---|
| ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: | 949 |
| ಮಾನ್ಯ ಸದಸ್ಯರ ಹೆಸರು | ಡಾ: ಚಂದ್ರಶೇಖರ್ ಬಿ. ಪಾಟೀಲ್ (ಪದವೀಧರರ ಕ್ಷೇತ್ರ) |
| ಉತ್ತರಿಸುವ ಸಚಿವರು | ಉಪ ಮುಖ್ಯಮಂತ್ರಿಗಳು (ಉನ್ನತ ಶಿಕ್ಷಣ) |
| ಉತ್ತರಿಸಬೇಕಾದ ದಿನಾಂಕ | 15-03-2021 |

| | ಪ್ರಶ್ನೆ | ಉತ್ತರ |
|---|---|---|
| (ಅ) | ಗುಲ್ಬರ್ಗ ವಿಶ್ವವಿದ್ಯಾನಿಲಯ, ರಾಯಚೂರು ವಿಶ್ವವಿದ್ಯಾನಿಲಯ, ಕೃಷ್ಣದೇವರಾಯ ವಿಶ್ವವಿದ್ಯಾಲಯಗಳಲ್ಲಿ ಖಾಲಿ ಇರುವ ಬೋಧಕ ಹಾಗೂ ಬೋಧಕೇತರ ಹುದ್ದೆಗಳ ಸಂಖ್ಯೆ ಎಷ್ಟು; (ವಿಶ್ವವಿದ್ಯಾಲಯವಾರು ಮಾಹಿತಿ ಒದಗಿಸುವುದು) | ಗುಲ್ಬರ್ಗ ವಿಶ್ವವಿದ್ಯಾನಿಲಯ, ರಾಯಚೂರು ವಿಶ್ವವಿದ್ಯಾನಿಲಯ ಮತ್ತು ವಿಜಯನಗರ ಶ್ರೀಕೃಷ್ಣದೇವರಾಯ ವಿಶ್ವವಿದ್ಯಾಲಯಗಳಲ್ಲಿ ಖಾಲಿ ಇರುವ ಬೋಧಕ ಹಾಗೂ ಬೋಧಕೇತರ ಹುದ್ದೆಗಳ ವಿವರ ಈ ಕೆಳಕಂಡಂತಿದೆ; (see table below) |

| ಕ್ರ. ಸಂ. | ವಿಶ್ವವಿದ್ಯಾನಿಲಯದ ಹೆಸರು | ಖಾಲಿ ಇರುವ ಬೋಧಕ ಹುದ್ದೆಗಳ ಸಂಖ್ಯೆ | ಖಾಲಿ ಇರುವ ಬೋಧಕೇತರ ಹುದ್ದೆಗಳ ಸಂಖ್ಯೆ |
|---|---|---|---|
| 1 | ಗುಲ್ಬರ್ಗ ವಿಶ್ವವಿದ್ಯಾನಿಲಯ | 189 | 486 |
| 2 | ವಿಜಯನಗರ ಶ್ರೀಕೃಷ್ಣದೇವರಾಯ ವಿಶ್ವವಿದ್ಯಾನಿಲಯ | 56 | 97 |
| 3 | ರಾಯಚೂರು ವಿಶ್ವವಿದ್ಯಾನಿಲಯ | ಸದರಿ ವಿಶ್ವವಿದ್ಯಾನಿಲಯವು 2020-21ನೇ ಸಾಲಿನಲ್ಲಿ ಪ್ರಾರಂಭವಾಗಿದ್ದು, ಯಾವುದೇ ಹುದ್ದೆಗಳು ಸೃಜನೆಯಾಗಿರುವುದಿಲ್ಲ. | |

| | ಪ್ರಶ್ನೆ | ಉತ್ತರ |
|---|---|---|
| (ಆ) | ಈ ಮೂರು ವಿಶ್ವವಿದ್ಯಾಲಯಗಳಲ್ಲಿ ಬೋಧಕ ಮತ್ತು ಬೋಧಕೇತರ ಹುದ್ದೆಗಳು ಖಾಲಿಯಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರದ ಸ್ಪಷ್ಟ ನಿಲುವೇನು; | ಬಂದಿದೆ.<br>ಆರ್ಥಿಕ ಇಲಾಖೆಯ ಸುತ್ತೋಲೆ ಸಂ. ಆಇ 03 ಬಿಇಎಂ 2020, ದಿನಾಂಕ: 06-07-2020 ರಲ್ಲಿ "ರಾಜ್ಯದಲ್ಲಿ ಕೋವಿಡ್-19ನಿಂದ ಉಂಟಾದ ಪರಿಸ್ಥಿತಿಯನ್ನು ನಿಭಾಯಿಸಿ ಆರ್ಥಿಕ ಸ್ಥಿತಿಯನ್ನು ಸುಸ್ಥಿತಿಗೆ ತರುವ ನಿಟ್ಟಿನಲ್ಲಿ ಸಂಪನ್ಮೂಲವನ್ನು ಕ್ರೋಢೀಕರಿಸುವುದು ಅಗತ್ಯವಾಗಿರುತ್ತದೆ. ಇದಕ್ಕಾಗಿ, ಸರ್ಕಾರದ ವೆಚ್ಚದ ಬಾಬ್ತಿನಲ್ಲಿ ಮಿತವ್ಯಯ ಪಾಲಿಸುವ ಅವಶ್ಯಕತೆ ಇದೆ. ಈ ನಿಟ್ಟಿನಲ್ಲಿ 2020-21ನೇ ಸಾಲಿನ ಆರ್ಥಿಕ ವರ್ಷದಲ್ಲಿ ಕಲ್ಯಾಣ ಕರ್ನಾಟಕ ವೃಂದದ ಹುದ್ದೆಗಳು ಮತ್ತು ಬ್ಯಾಕ್‌ಲಾಗ್ ಹುದ್ದೆಗಳೂ ಸೇರಿದಂತೆ ಎಲ್ಲಾ ನೇರ ನೇಮಕಾತಿ ಹುದ್ದೆಗಳನ್ನು ಭರ್ತಿ ಮಾಡುವುದನ್ನು ಮುಂದಿನ ಆದೇಶದವರೆಗೆ ತಡೆಹಿಡಿಯಲಾಗಿರುತ್ತದೆ.<br>ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳುವ ಸಂಬಂಧ ವಿಧಿಸಿರುವ ನಿರ್ಬಂಧಗಳನ್ನು ಆರ್ಥಿಕ ಇಲಾಖೆಯು ತೆರವುಗೊಳಿಸಿದ ನಂತರ ವಿಶ್ವವಿದ್ಯಾನಿಲಯಗಳಲ್ಲಿ ಖಾಲಿ ಇರುವ ಬೋಧಕ ಮತ್ತು ಬೋಧಕೇತರ ಹುದ್ದೆಗಳನ್ನು ನಿಯಮಾನುಸಾರ ಭರ್ತಿ ಮಾಡಿಕೊಳ್ಳಲು ಕ್ರಮವಹಿಸಲಾಗುವುದು. |
| (ಇ) | ಈ ಮೂರು ವಿಶ್ವವಿದ್ಯಾಲಯದಲ್ಲಿ ಖಾಲಿ ಇರುವ ಬೋಧಕ ಮತ್ತು ಬೋಧಕೇತರ ಹುದ್ದೆಗಳ ಭರ್ತಿಗೆ ಸರ್ಕಾರ ಯಾವುದಾದರು ಡೆಡ್ ಲೈನ್ ಅಳವಡಿಸಿಕೊಂಡಿದೆಯೇ? | |

ಸಂಖ್ಯೆ: ಇಡಿ 91 ಯುಎನ್‌ಇ 2021

(ಡಾ: ಅಶ್ವಥ್ ನಾರಾಯಣ ಸಿ.ಎನ್.)
ಉಪ ಮುಖ್ಯಮಂತ್ರಿಗಳು
(ಉನ್ನತ ಶಿಕ್ಷಣ, ಐಟಿ & ಬಿಟಿ,
ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ,
ಉದ್ಯಮಶೀಲತೆ ಮತ್ತು ಜೀವನೋಪಾಯ ಇಲಾಖೆ).